# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಹದಿನಾಲ್ಕನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಬುಧವಾರ, ದಿನಾಂಕ 14ನೇ ಜೂನ್, 2017
(ಸಮಯ: ಬೆಳಿಗ್ಗೆ 10.30 ಗಂಟೆಗೆ)

----

## 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಎಂಟನೇ ಪಟ್ಟಿ

ಆ) **ತಡೆಹಿಡಿಯಲಾದ ಪ್ರಶ್ನೆಗಳು :-**

ದಿನಾಂಕ: 07.06.2017ರ 3ನೇ ಪಟ್ಟಿಯಿಂದ ತಡೆಹಿಡಿಯಲಾದ **ಶ್ರೀ ಜಿ.ಹೆಚ್. ತಿಪ್ಪಾರೆಡ್ಡಿ** ಅವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ 31 (160) : ವಸತಿ ಸಚಿವರು

ಇ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಎಂಟನೇ ಪಟ್ಟಿ

## 2. ವಿತ್ತೀಯ ಕಾರ್ಯಕಲಾಪಗಳು

1. **ಶ್ರೀ ಸಿದ್ದರಾಮಯ್ಯ (ಮಾನ್ಯ ಮುಖ್ಯಮಂತ್ರಿಗಳು)** ಅವರು : 2017-18ನೇ ಸಾಲಿನ ಪೂರಕ ಅಂದಾಜುಗಳನ್ನು (ಮೊದಲನೇ ಕಂತು) ಮಂಡಿಸುವುದು.

2. 2017-18ನೇ ಸಾಲಿನ ಈ ಕೆಳಕಂಡ ಅನುದಾನ ಬೇಡಿಕೆಗಳ ಮೇಲೆ ಮುಂದುವರೆದ ಚರ್ಚೆ :-

| **ಬೇಡಿಕೆ ಸಂಖ್ಯೆ** | **ಬೇಡಿಕೆಯ ಹೆಸರು** |
|---|---|
| 01 | ಕೃಷಿ ಮತ್ತು ತೋಟಗಾರಿಕೆ |
| 02 | ಪಶುಸಂಗೋಪನೆ ಮತ್ತು ಮೀನುಗಾರಿಕೆ |
| 03 | ಆರ್ಥಿಕ |

| | |
|---|---|
| 04 | ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ |
| 05 | ಒಳಾಡಳಿತ ಮತ್ತು ಸಾರಿಗೆ |
| 06 | ಮೂಲಭೂತ ಸೌಕರ್ಯ ಅಭಿವೃದ್ಧಿ |
| 07 | ಗ್ರಾಮೀಣ ಅಭಿವೃದ್ಧಿ ಮತ್ತು ಪಂಚಾಯತಿ ರಾಜ್ |
| 08 | ಅರಣ್ಯ, ಜೀವಿ ಶಾಸ್ತ್ರ ಮತ್ತು ಪರಿಸರ |
| 09 | ಸಹಕಾರ |
| 10 | ಸಮಾಜ ಕಲ್ಯಾಣ |
| 11 | ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ |
| 12 | ವಾರ್ತಾ, ಪ್ರವಾಸೋದ್ಯಮ ಮತ್ತು ಯುವಜನ ಸೇವೆಗಳು |
| 13 | ಆಹಾರ ಮತ್ತು ನಾಗರೀಕ ಸರಬರಾಜು |
| 14 | ಕಂದಾಯ |
| 15 | ಮಾಹಿತಿ ತಂತ್ರಜ್ಞಾನ |
| 16 | ವಸತಿ |
| 17 | ಶಿಕ್ಷಣ |
| 18 | ವಾಣಿಜ್ಯ ಮತ್ತು ಕೈಗಾರಿಕೆ |
| 19 | ನಗರಾಭಿವೃದ್ಧಿ |
| 20 | ಲೋಕೋಪಯೋಗಿ |
| 21 | ಜಲ ಸಂಪನ್ಮೂಲ |
| 22 | ಆರೋಗ್ಯ ಮತ್ತು ಕುಟುಂಬ ಕಲ್ಯಾಣ |
| 23 | ಕಾರ್ಮಿಕ ಮತ್ತು ಕೌಶಲ್ಯ ಅಭಿವೃದ್ಧಿ |
| 24 | ಇಂಧನ |
| 25 | ಕನ್ನಡ ಮತ್ತು ಸಂಸ್ಕೃತಿ |
| 26 | ಯೋಜನೆ, ಸಾಂಖ್ಯಿಕ, ವಿಜ್ಞಾನ ಮತ್ತು ತಂತ್ರಜ್ಞಾನ |
| 27 | ಕಾನೂನು |
| 28 | ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನೆ |

. . . 3

## 3. ಶಾಸನ ರಚನೆ

### I. ವಿಧೇಯಕಗಳನ್ನು ಮಂಡಿಸುವುದು

**1. ಶ್ರೀ ಬಸವರಾಜ ರಾಯರಡ್ಡಿ (ಉನ್ನತ ಶಿಕ್ಷಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಡಾ॥ ಗಂಗೂಬಾಯಿ ಹಾನಗಲ್ ಸಂಗೀತ ಮತ್ತು ಪ್ರದರ್ಶಕ ಕಲೆಗಳ ವಿಶ್ವವಿದ್ಯಾಲಯ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು.

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**2. ಶ್ರೀ ಬಸವರಾಜ ರಾಯರಡ್ಡಿ (ಉನ್ನತ ಶಿಕ್ಷಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ವಿಶ್ವವಿದ್ಯಾನಿಲಯಗಳ ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು.

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

**3. ಶ್ರೀ ಬಸವರಾಜ ರಾಯರಡ್ಡಿ (ಉನ್ನತ ಶಿಕ್ಷಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಉನ್ನತ ಶಿಕ್ಷಣ ಪರಿಷತ್ತು (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು.

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### II ವಿಧೇಯಕಗಳನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು

**1. ಶ್ರೀ ಸಿದ್ದರಾಮಯ್ಯ (ಮುಖ್ಯ ಮಂತ್ರಿಗಳು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ಸರಕು ಮತ್ತು ಸೇವೆಗಳ ತೆರಿಗೆ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2. ಶ್ರೀ ಸಿದ್ದರಾಮಯ್ಯ (ಮುಖ್ಯ ಮಂತ್ರಿಗಳು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ಮಾರಾಟಗಳ ತೆರಿಗೆ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು

**3. ಶ್ರೀ ಕೆ.ಆರ್. ರಮೇಶ್ ಕುಮಾರ್ (ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳ (ವೈದ್ಯಾಧಿಕಾರಿಗಳು ಮತ್ತು ಇತರ ಸಿಬ್ಬಂದಿಯ ವರ್ಗಾವಣೆ ನಿಯಂತ್ರಣ) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**4. ಶ್ರೀ ಕೆ.ಆರ್. ರಮೇಶ್ ಕುಮಾರ್ (ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರು) ಅವರು :-**

ಅ) 2017ನೇ ಸಾಲಿನ ಕರ್ನಾಟಕ ಖಾಸಗಿ ವೈದ್ಯಕೀಯ ಸಂಸ್ಥೆಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು.

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 4. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1. **ಶ್ರೀಯುತರುಗಳಾದ ಲಕ್ಷ್ಮಣ ಸಂಗಪ್ಪ ಸವದಿ, ಡಿ.ಎನ್. ಜೀವರಾಜ್ ಮತ್ತು ಸಿ.ಟಿ. ರವಿ** ಇವರುಗಳು – ಶಿವಮೊಗ್ಗ ಜಿಲ್ಲಾ ಕೇಂದ್ರ ಸಹಕಾರಿ ಬ್ಯಾಂಕ್ ನಗರ ಶಾಖೆಯಲ್ಲಿ ನಡೆದಿರುವ ಅಕ್ರಮ ಹಾಗೂ ಅವ್ಯವಹಾರಗಳ ಪ್ರಕರಣಗಳನ್ನು ಸಿ.ಬಿ.ಐ.ಗೆ ವಹಿಸುವುದು ಹಾಗೂ ತಪ್ಪಿತಸ್ಥರ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ನೀಡಿರುವ ಸೂಚನೆಯ ಮೇಲೆ ಚರ್ಚೆ.

. . . 5

2. **ಶ್ರೀಯುತರುಗಳಾದ ಬಿ.ಬಿ. ನಿಂಗಯ್ಯ, ಡಿ.ಎಸ್. ಜೀವರಾಜ್ ಮತ್ತು ಎಂ.ಪಿ. ಅಪ್ಪಚ್ಚು (ರಂಜನ್)** ಇವರುಗಳು – ಗ್ರಾಮೀಣ ಪ್ರದೇಶಗಳಲ್ಲಿ ಸರ್ಕಾರಿ ಜಮೀನಿನಲ್ಲಿ ಜೀವನೋಪಯಕ್ಕಾಗಿ ಕೃಷಿ ಮಾಡಿಕೊಂಡು ಜೀವನ ಸಾಗಿಸುತ್ತಿರುವ ಬಡ ರೈತರಿಗೆ ಕಂದಾಯ ಇಲಾಖೆಯ ಕಾಯ್ದೆ 192ಎ ಮತ್ತು 192 ಬಿ ಯಿಂದ ಅನ್ಯಾಯವಾಗುತ್ತಿರುವುದರಿಂದ ಅಗತ್ಯ ತಿದ್ದುಪಡಿ ತರುವ ಬಗ್ಗೆ ನೀಡಿರುವ ಸೂಚನೆಯ ಮೇಲೆ ಚರ್ಚೆ.

3. **ಶ್ರೀಯುತರುಗಳಾದ ಅರವಿಂದ ಚಂದ್ರಕಾಂತ ಬೆಲ್ಲದ, ಡಾ|| ಅಶ್ವಥ್‌ನಾರಾಯಣ ಸಿ.ಎನ್. ಮತ್ತು ಆನಂದ ಅಲಿಯಾಸ್ ವಿಶ್ವನಾಥ ಚಂದ್ರಶೇಖರ ಮಾಮನಿ** ಇವರುಗಳು – ಸರ್ಕಾರ ನೀಡಿದ ಆಶ್ವಾಸನೆಯಂತೆ ಹುಬ್ಬಳ್ಳಿ – ಧಾರವಾಡ ಮಹಾನಗರ ಪಾಲಿಕೆಯ ಸುಮಾರು 100 ಕೋಟಿಯಷ್ಟು ಪಿಂಚಣಿ ಹಣ ಈವರೆವಿಗೂ ಮರುಪಾವತಿಯಾಗದೇ ಇರುವ ಬಗ್ಗೆ ನೀಡಿರುವ ಸೂಚನೆಯ ಮೇಲೆ ಚರ್ಚೆ.

## 5. ಗಮನ ಸೆಳೆಯುವ ಸೂಚನೆಗಳು

1. **ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಸಿ.ಎನ್. ಬಾಲಕೃಷ್ಣ, ಹೆಚ್.ಡಿ. ರೇವಣ್ಣ ಮತ್ತು ಕೆ.ಎಂ. ಶಿವಲಿಂಗೇಗೌಡ** ಇವರುಗಳು – ಹಾಸನ-ಮೈಸೂರು ರಸ್ತೆಯ ಮಧ್ಯದಲ್ಲಿರುವ ಹಂಗರಹಳ್ಳಿ ಗ್ರಾಮದ ಕಸ್ತೂರಿ ಬಾ ವಸತಿ ಶಾಲೆಯಲ್ಲಿ ಪದವಿ ಪೂರ್ವ ತರಗತಿಗಳನ್ನು ಆರಂಭಿಸಲು ಅವಶ್ಯಕ ಬೋಧಕ/ಬೋಧಕೇತರ ಸಿಬ್ಬಂದಿಯ ಹುದ್ದೆಗಳೊಂದಿಗೆ ಮಂಜೂರು ಮಾಡುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

2. **ಶ್ರೀ ಎಂ.ಜೆ. ಅಪ್ಪಾಜಿ** ಇವರು – ಭದ್ರಾವತಿಯಲ್ಲಿರುವ ವಿಶ್ವೇಶ್ವರಯ್ಯ ಕಬ್ಬಿಣ ಮತ್ತು ಉಕ್ಕಿನ ಕಾರ್ಖಾನೆಗೆ ಕಬ್ಬಿಣದ ಅದಿರನ್ನು ಪೂರೈಸಲು ಗಣಿಯನ್ನು ಮಂಜೂರು ಮಾಡುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಸಚಿವರ ಗಮನ ಸೆಳೆಯುವುದು.

3. **ಶ್ರೀ ಜೆ.ಆರ್.ಲೋಬೋ** ಇವರು – ವಿದ್ಯಾರ್ಥಿನಿಲಯಗಳಿಗೆ, ಅನಾಥಾಶ್ರಮದ ಮಕ್ಕಳಿಗೆ, ಕಾನ್ವೆಂಟಿನ ಸಿಸ್ಟರ್‌ಗಳಿಗೆ, ಕುಷ್ಟರೋಗಿಗಳ ಮತ್ತು ಇನ್ನಿತರ ಅನಾಥಾಶ್ರಮಗಳಿಗೆ, ಈಶ್ವರೀಯ ಬ್ರಹ್ಮಕುಮಾರಿ ಸಂಸ್ಥೆಯವರಿಗೆ ಪಡಿತರ ಚೀಟಿಗಳು ಸಿಗದ ಕಾರಣ ಆಗಿರುವ ಸಮಸ್ಯೆಗಳ ಬಗ್ಗೆ ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕ ವ್ಯವಹಾರಗಳ ಸಚಿವರ ಗಮನ ಸೆಳೆಯುವುದು.

4. **ಡಾ|| ನಾರಾಯಣಗೌಡ** ಇವರು – ಮಂಡ್ಯ ಜಿಲ್ಲೆ, ಕೆ.ಆರ್.ಪೇಟೆ ತಾಲ್ಲೂಕಿನ ಮುರುಕನ ಹಳ್ಳಿಯಲ್ಲಿ ನಡೆದ ಕೊಲೆ ಪ್ರಕರಣಕ್ಕೆ ಸಂಬಂಧಿಸಿದಂತೆ ಕರ್ತವ್ಯ ಲೋಪವೆಸಗಿರುವ ಡಿ.ವೈ.ಎಸ್.ಪಿ. ಅವರನ್ನು ಅಮಾನತ್ತುಗೊಳಿಸದೇ ಇರುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

5. **ಶ್ರೀ ಜೆ.ಆರ್. ಲೋಬೋ** ಇವರು – ಕೊಲ್ಲಿ ರಾಷ್ಟ್ರದ ಕತಾರ್ ದೇಶದಲ್ಲಿ ಕೆಲಸ ನಿರ್ವಹಿಸುವ ಅನಿವಾಸಿ ಭಾರತೀಯ ಕನ್ನಡಿಗರಿಗೆ NRI FORUM ಮುಖಾಂತರ ಪುನರ್ ವಸತಿ, ಪರಿಹಾರ ಹಾಗೂ ಇನ್ನಿತರ ವ್ಯವಸ್ಥೆಗಳನ್ನು ಕಲ್ಪಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.

6. **ಶ್ರೀ ಹೆಚ್.ಕೆ. ಕುಮಾರಸ್ವಾಮಿ** ಇವರು – ರಾಷ್ಟ್ರೀಯ ಹೆದ್ದಾರಿಯಿಂದ ಹಾಸನ ಜಿಲ್ಲೆ ಸಕಲೇಶಪುರ ನೂತನ ಬಸ್ ನಿಲ್ದಾಣಕ್ಕೆ ಸಂಪರ್ಕ ಕಲ್ಪಿಸುವ ರಸ್ತೆಯನ್ನು ದುರಸ್ತಿಪಡಿಸುವ ಬಗ್ಗೆ ಮಾನ್ಯ ಲೋಕೋಪಯೋಗಿ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರ ಗಮನ ಸೆಳೆಯುವುದು.

7. **ಶ್ರೀ ಅರವಿಂದ ಲಿಂಬಾವಳಿ** ಇವರು – ಸಿದ್ದಾಪುರ ಗ್ರಾಮ ಬೆಂಗಳೂರು ಪೂರ್ವ ತಾಲ್ಲೂಕು ವರ್ತೂರು ಹೋಬಳಿ ಸರ್ವೆ ನಂ.3/1ಎಪಿ/1ರ ಜಮೀನನ್ನು ಆಸ್ಪತ್ರೆ ನಿರ್ಮಾಣ ಮಾಡಲು ಬಿ.ಎಂ.ಟಿ.ಸಿ ಯಿಂದ ಆರೋಗ್ಯ ಇಲಾಖೆಗೆ ಹಸ್ತಾಂತರಿಸದೇ ಇರುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

8. **ಶ್ರೀ ಕೆ.ಎಂ. ಶಿವಲಿಂಗೇಗೌಡ** ಇವರು – ಹಾಸನ ಜಿಲ್ಲೆ, ಅರಸೀಕೆರೆ ತಾಲ್ಲೂಕು, ರಾಷ್ಟ್ರೀಯ ಹೆದ್ದಾರಿ–234ರಲ್ಲಿ ಬಾಣಾವರದಿಂದ ಹುಳಿಯಾರು ಭಾಗದ ರಸ್ತೆ ಟೆಂಡರನ್ನು ರದ್ದುಗೊಳಿಸಿರುವುದರಿಂದ ಸಾರ್ವಜನಿಕರಿಗೆ ತೊಂದರೆಯಾಗಿರುವ ಬಗ್ಗೆ ಮಾನ್ಯ ಲೋಕೋಪಯೋಗಿ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರ ಗಮನ ಸೆಳೆಯುವುದು.

9. **ಶ್ರೀ ಕೆ.ಜಿ. ಬೋಪಯ್ಯ** ಇವರು – ಕಂದಾಯ ಇಲಾಖೆಯಿಂದ ನೆಡುತೋಪು ನೆಡಲು ನೀಡಿರುವ ಸಿ ಮತ್ತು ಡಿ ಜಮೀನನ್ನು ಅರಣ್ಯ ಇಲಾಖೆಯಿಂದ ಹಿಂಪಡೆಯುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

10. **ಶ್ರೀಮತಿ ಜೊಲ್ಲೆ ಶಶಿಕಲಾ ಅಣ್ಣಾಸಾಹೇಬ** ಇವರು – ನಿಪ್ಪಾಣಿ ಮತ ಕ್ಷೇತ್ರದ ಹಲವಾರು ಗ್ರಾಮಗಳಲ್ಲಿನ ಶಾಲೆಗಳನ್ನು ವಿವಿಧ ಭಾಷೆಗಳ ಪ್ರೌಢಶಾಲೆಗಳನ್ನಾಗಿ ಮೇಲ್ದರ್ಜೆಗೇರಿಸುವ ಹಾಗೂ ಹೊಸ ವಿಭಾಗಗಳನ್ನು ಆರಂಭಿಸುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಅಲ್ಪ ಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರ ಗಮನ ಸೆಳೆಯುವುದು.

. . . 7

11. **ಡಾ॥ ಅಶ್ವಥ್‌ನಾರಾಯಣ ಸಿ.ಎನ್.** ಇವರು – ಕಳೆದ 3 ವರ್ಷಗಳಿಂದ ಕಡು ಬಡ ಕುಟುಂಬಗಳಿಗೆ ಬಿ.ಪಿ.ಎಲ್ ಕಾರ್ಡ್ ನೀಡದೆ ಇರುವುದರಿಂದ ಹೆಣ್ಣು ಮಕ್ಕಳು ಭಾಗ್ಯಲಕ್ಷ್ಮಿ ಯೋಜನೆಯಿಂದ ವಂಚಿತರಾಗಿರುವ ಬಗ್ಗೆ ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

12. **ಶ್ರೀ ಗೋವಿಂದ ಎಂ. ಕಾರಜೋಳ** ಇವರು – ಬಾಗಲಕೋಟೆ ಜಿಲ್ಲೆಯ ಮುದೋಳ ತಾಲ್ಲೂಕಿನ ಬೆಳಗಲಿ ಪಟ್ಟಣ ಪಂಚಾಯತಿ ವ್ಯಾಪ್ತಿಯ ತೋಟದ ಮನೆಗಳನ್ನು ವಸತಿ ಯೋಜನೆಗಳ ಮೂಲಕ ಹಂಚಿಕೆ ಮಾಡುವ ಬಗ್ಗೆ ಮಾನ್ಯ ಪೌರಾಡಳಿತ, ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳ ರಾಜ್ಯ ಸಚಿವರ ಗಮನ ಸೆಳೆಯುವುದು.

13. **ಶ್ರೀಯುತರುಗಳಾದ ಪಿ.ಟಿ. ಪರಮೇಶ್ವರ ನಾಯ್ಕ, ವಡ್ನಾಳ್ ರಾಜಣ್ಣ, ಕಿಮ್ಮನೆ ರತ್ನಾಕರ, ಡಿ.ಜಿ. ಶಾಂತನಗೌಡ, ಹೆಚ್.ಎಸ್. ಶಿವಶಂಕರ್ ಹಾಗೂ** ಇತರರು – 2017–18ನೇ ಸಾಲಿಗೆ ಸಂಬಂಧಿಸಿದ ನಂಜುಂಡಪ್ಪ ಅನುಷ್ಠಾನ ಸಮಿತಿಯಿಂದ ಹಿಂದುಳಿದ 114 ತಾಲ್ಲೂಕುಗಳಿಗೆ ಸೀಮಿತವಾಗಿ ಅಭಿವೃದ್ಧಿ ಯೋಜನೆಗೆ ಅನುದಾನ ಬಿಡುಗಡೆ ಮತ್ತು ಅನುಷ್ಠಾನಗೊಳಿಸುವ ಬಗ್ಗೆ ಮಾನ್ಯ ಯೋಜನೆ ಮತ್ತು ಸಾಂಖ್ಯಿಕ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ ಸಚಿವರ ಗಮನ ಸೆಳೆಯುವುದು.

14. **ಡಾ॥ ಕೆ. ಸುಧಾಕರ್** ಇವರು – ಚಿಕ್ಕಾಬಳ್ಳಾಪುರ ತಾಲ್ಲೂಕಿನಲ್ಲಿ ಅಕ್ರಮವಾಗಿ ನಡೆಯುತ್ತಿರುವ ಅಲಂಕಾರಿಕ ಶಿಲಾ ಗಣಿಗಾರಿಕೆಯ ಪ್ರಕರಣಗಳನ್ನು ಸಿ.ಐ.ಡಿ.ಗೆ ವಹಿಸಿ ಸರ್ಕಾರದ ಬೊಕ್ಕಸಕ್ಕೆ ಬರಬೇಕಾಗಿದ್ದ ಕೋಟ್ಯಾಂತರ ಹಣವನ್ನು ಬಡ್ಡಿ ಸಮೇತ ವಸೂಲು ಮಾಡುವುದು ಹಾಗೂ ತಪ್ಪಿತಸ್ತರ ವಿರುದ್ಧ ಕಠಿಣ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಸಚಿವರ ಗಮನ ಸೆಳೆಯುವುದು.

15. **ಡಾ॥ ಎ.ಬಿ. ಮಾಲಕರಡ್ಡಿ** ಇವರು – ಯಾದಗಿರಿ ವಿಧಾನಸಭಾ ಕ್ಷೇತ್ರದ ಶಹಾಪುರ ತಾಲ್ಲೂಕಿನ ವಡಗೇರಾವನ್ನು ಹೊಸ ತಾಲ್ಲೂಕು ಕೇಂದ್ರವನ್ನಾಗಿ ಘೋಷಿಸಿರುವಂತೆ ರಚಿಸಲು ಕೈಗೊಂಡಿರುವ ಕ್ರಮಗಳ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

16. **ಶ್ರೀಯುರುಗಳಾದ ಹೆಚ್.ಎಸ್. ಪ್ರಕಾಶ್, ಹೆಚ್.ಡಿ. ರೇವಣ್ಣ ಮತ್ತು ಹೆಚ್.ಕೆ ಕುಮಾರಸ್ವಾಮಿ** ಇವರುಗಳು – ಹಾಸನ ಜಿಲ್ಲೆ, ಯಗಚಿ ಜಲಾಶಯ ಯೋಜನೆಯ ಎಡದಂಡೆ ನಾಲೆ ಕಾಮಸಮುದ್ರ ಶಾಖಾ ನಾಲೆ ಕಿ.ಮೀ.0.00 ರಿಂದ 35.00 ರವರೆಗೆ ಅಭಿವೃದ್ಧಿ ಕಾಮಗಾರಿಯ ಸಂಬಂಧದಲ್ಲಿ ಗ್ರಾಮಗಳ ಜಮೀನುಗಳ ಭೂ ಸ್ವಾಧೀನ ಪ್ರಕ್ರಿಯೆಗಳನ್ನು ಪೂರ್ಣಗೊಳಿಸಿ ರೈತರಿಗೆ ಪರಿಹಾರವನ್ನು ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

. . . 8

17. **ಶ್ರೀಯುತರುಗಳಾದ ಹೆಚ್. ಕೆ. ಕುಮಾರಸ್ವಾಮಿ, ಹೆಚ್.ಡಿ.ರೇವಣ್ಣ, ಹೆಚ್.ಎಸ್. ಪ್ರಕಾಶ್ ಮತ್ತು ಕೆ.ಎಂ. ಶಿವಲಿಂಗೇಗೌಡ** ಇವರುಗಳು – ಹಾಸನ ಜಿಲ್ಲೆಯ ಶ್ರವಣಬೆಳಗೊಳದಲ್ಲಿ 2018ರಲ್ಲಿ ನಡೆಯಲಿರುವ ಮಹಾಮಸ್ತಕಾಭಿಷೇಕ ಕಾರ್ಯಕ್ರಮದ ಹಿನ್ನೆಲೆಯಲ್ಲಿ ಶ್ರವಣಬೆಳಗೊಳ, ಹಾಸನ ನಗರ, ಬೇಲೂರು, ಹಳೇಬೀಡು ವ್ಯಾಪ್ತಿಯ ಅಭಿವೃದ್ಧಿ ಕಾಮಗಾರಿಗಳನ್ನು ಪಾರದರ್ಶಕವಾಗಿ ಕೈಗೊಳ್ಳುವ ಬಗ್ಗೆ ಮಾನ್ಯ ಲೋಕೋಪಯೋಗಿ, ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರ ಗಮನ ಸೆಳೆಯುವುದು.

18. **ಶ್ರೀ ಹೆಚ್.ಡಿ. ರೇವಣ್ಣ** ಇವರು – ಹಾಸನ ಜಿಲ್ಲೆ ಹೊಳೆನರಸೀಪುರ ತಾಲ್ಲೂಕಿನ ಮುಜರಾಯಿ ದೇವಸ್ಥಾನಗಳಲ್ಲಿ ರಸೀದಿ ಹಾಕಲು ಹಾಗೂ ಲೆಕ್ಕಪತ್ರಗಳನ್ನು ನಿರ್ವಹಿಸಲು ಅಗತ್ಯ ಸಿಬ್ಬಂದಿಯನ್ನು ನೇಮಿಸುವ ಬಗ್ಗೆ ಮಾನ್ಯ ಜವಳಿ ಹಾಗೂ ಮುಜರಾಯಿ ರಾಜ್ಯ ಸಚಿವರ ಗಮನ ಸೆಳೆಯುವುದು.

19. **ಶ್ರೀ ಎನ್..ಹೆಚ್. ಕೋನರಡ್ಡಿ** ಇವರು – ರಾಜ್ಯದಲ್ಲಿ ಕುಡುಒಕ್ಕಲಿಗ ಜನಾಂಗದವರನ್ನು ಹಿಂದುಳಿದ ವರ್ಗಗಳ ಆಯೋಗದ ಶಿಫಾರಸ್ಸಿನಂತೆ 3ಎ ವರ್ಗಕ್ಕೆ ಸೇರ್ಪಡೆಗೊಳಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

20. **ಶ್ರೀ ವೈ.ಎ. ನಾರಾಯಣಸ್ವಾಮಿ** ಇವರು – ಬೆಂಗಳೂರು ಮಹಾನಗರ ವ್ಯಾಪ್ತಿಯಲ್ಲಿನ ಪ್ರಾಥಮಿಕ, ಪ್ರೌಢಶಾಲೆಗಳು ಹಾಗೂ ಪದವಿ ಪೂರ್ವ ಕಾಲೇಜುಗಳ ಶೈಕ್ಷಣಿಕ ಪ್ರಗತಿ ಕುಂಠಿತಗೊಂಡಿರುವ ಹಿನ್ನಲೆಯಲ್ಲಿ ಸದರಿ ಸಂಸ್ಥೆಗಳನ್ನು ಪ್ರಾಥಮಿಕ ಹಾಗೂ ಪ್ರೌಢಶಿಕ್ಷಣ ಇಲಾಖೆಗೆ ವರ್ಗಾಯಿಸುವ ಬಗ್ಗೆ ಮಾನ್ಯ ಬೆಂಗಳೂರು ಅಭಿವೃದ್ಧಿ ಮತ್ತು ನಗರ ಯೋಜನಾ ಸಚಿವರ ಗಮನ ಸೆಳೆಯುವುದು.

## 6. ಅರ್ಧ ಗಂಟೆ ಕಾಲಾವಧಿ ಚರ್ಚೆ

1. **ಶ್ರೀ ಹೆಚ್. ಎಸ್. ಪ್ರಕಾಶ್ ಮತ್ತು ಶ್ರೀ ಹೆಚ್.ಡಿ. ರೇವಣ್ಣ** ಇವರುಗಳು – "ಕೆ.ಐ.ಎ.ಡಿ.ಬಿ. ವತಿಯಿಂದ ಹಾಸನ ಜಿಲ್ಲೆಯಲ್ಲಿ ಎಸ್.ಇ. ಝಡ್ ಯೋಜನೆಯಡಿ ವಿವಿಧ ಕೈಗಾರಿಕಾ ಉದ್ಯಮಗಳನ್ನು ಸ್ಥಾಪಿಸಲು ಮಂಜೂರಾದ ಭೂಮಿಯಲ್ಲಿ ನಿಯಮಾವಳಿಗಳ ರೀತ್ಯ ಉದ್ಯಮಗಳನ್ನು ಸ್ಥಾಪಿಸದೆ ಇರುವವರ ವಿರುದ್ಧ ಕ್ರಮ ಕೈಗೊಳ್ಳುವುದರ ಬಗ್ಗೆ" ದಿನಾಂಕ: 06.06.2017ರ ಗಮನ ಸೆಳೆಯುವ ಸೂಚನೆಯಲ್ಲಿ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

2. **ಶ್ರೀ ಜೆ.ಆರ್. ಲೋಬೋ** ಇವರು – "ರಾಜ್ಯದ ಕರಾವಳಿ ಮತ್ತು ಮಲೆನಾಡು ಜಿಲ್ಲೆಗಳಲ್ಲಿ ಗ್ರಾಮೀಣಾಭಿವೃದ್ಧಿ ಇಲಾಖೆಯು ತಂದಿರುವ ನಮೂನೆ-9 ಮತ್ತು 11 ರಿಂದ ಆಗುತ್ತಿರುವ ತೊಂದರೆಯನ್ನು ನೀಗಿಸುವ ಬಗ್ಗೆ" ದಿನಾಂಕ: 06.06.2017ರ ಗಮನ ಸೆಳೆಯುವ ಸೂಚನೆಯಲ್ಲಿ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

3. **ಶ್ರೀ ಹೆಚ್.ಕೆ. ಕುಮಾರಸ್ವಾಮಿ** ಇವರು – "ದಿನಾಂಕ:04.06.2017ರಂದು ಸಕಲೇಶಪುರ ತಾಲ್ಲೂಕಿನಲ್ಲಿ ಆನೆ ದಾಳಿಯಿಂದ ರೈತನೋರ್ವ ಸಾವನ್ನಪ್ಪಿದ್ದು ಸೇರಿದಂತೆ, ಆನೆ ದಾಳಿಯಿಂದ ಪ್ರಾಣ, ಆಸ್ತಿ, ಹಾನಿ ತಡೆಯಲು ಆನೆ ಕಾರಿಡಾರ್ ಯೋಜನೆ ಮತ್ತು ಇತರೆ ಪರಿಹಾರ ನೀಡುವ ಬಗ್ಗೆ" ದಿನಾಂಕ: 06.06.2017ರಂದು ಶೂನ್ಯವೇಳೆಯಲ್ಲಿ ಪ್ರಸ್ತಾಪಿಸಿದ ವಿಷಯ ಹಾಗೂ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

4. **ಶ್ರೀ ಮೋಹಿಯುದ್ದಿನ್ ಬಾವಾ ಬಿ.ಎ. ಇವರು** – "ಬಿ.ಪಿ.ಎಲ್. ಪಡಿತರ ಚೀಟಿ ವಿತರಣೆ ಕುರಿತು" ದಿನಾಂಕ: 08.06.2017ರಂದು ಸದನದಲ್ಲಿ ಉತ್ತರಿಸುವ 4ನೇ ಪಟ್ಟಿಯಲ್ಲಿನ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 55 (994)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

5. **ಶ್ರೀ ವಿ. ಸುನೀಲ್ ಕುಮಾರ್** ಇವರು – "ರಾಜ್ಯದಲ್ಲಿ ಸರ್ಕಾರಿ ಜಮೀನುಗಳನ್ನು ಅವೈಜ್ಞಾನಿಕವಾಗಿ ಡೀಮ್ಡ್ ಫಾರೆಸ್ಟ್ ಪಟ್ಟಿಗೆ ಸೇರಿಸಿರುವುದರಿಂದ ಸಾರ್ವಜನಿಕರಿಗೆ ತೊಂದರೆಯಾಗಿರುವ ಬಗ್ಗೆ" ದಿನಾಂಕ: 13.06.2017ರ ಗಮನ ಸೆಳೆಯುವ ಸೂಚನೆಯಲ್ಲಿ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

**ಎಸ್. ಮೂರ್ತಿ**
ಕಾರ್ಯದರ್ಶಿ(I/c)

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm